# ಕರ್ನಾಟಕ ವಿಧಾನಸಭೆ

(15ನೇ ವಿಧಾನಸಭೆ)
ಎಂಟನೇ ಅಧಿವೇಶನ

## ಕಾರ್ಯಕಲಾಪಗಳ ಪಟ್ಟಿ

ಮಂಗಳವಾರ, ದಿನಾಂಕ 08ನೇ ಡಿಸೆಂಬರ್, 2020
(ಸಮಯ: ಬೆಳಿಗ್ಗೆ 10.30 ಗಂಟೆಗೆ)

----

### 1. ಪ್ರಶ್ನೋತ್ತರ

ಅ) ಸದನದಲ್ಲಿ ಉತ್ತರಿಸುವ ಪ್ರಶ್ನೆಗಳು : ಎರಡನೇ ಪಟ್ಟಿ

ಆ) ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆಗಳು : ಎರಡನೇ ಪಟ್ಟಿ

### 2. ವಿತ್ತೀಯ ಕಾರ್ಯಕಲಾಪಗಳು

**ಶ್ರೀ ಬಿ.ಎಸ್. ಯಡಿಯೂರಪ್ಪ (ಮಾನ್ಯ ಮುಖ್ಯಮಂತ್ರಿಗಳು) ಅವರು:-**

2020-21ನೇ ಸಾಲಿನ ಪೂರಕ ಅಂದಾಜುಗಳನ್ನು (ಎರಡನೇ ಕಂತು) ಮಂಡಿಸುವುದು.

### 3. ಅರ್ಜಿಗಳನ್ನೊಪ್ಪಿಸುವುದು

**ಶ್ರೀ ಆನಂದ್ ಅಲಿಯಾಸ್ ವಿಶ್ವನಾಥ್ ಚಂದ್ರಶೇಖರ ಮಾಮನಿ** (ಮಾನ್ಯ ಉಪ ಸಭಾಧ್ಯಕ್ಷರು ಹಾಗೂ ಅಧ್ಯಕ್ಷರು, ಅರ್ಜಿಗಳ ಸಮಿತಿ) ಅವರು ಈ ಕೆಳಕಂಡ ಅರ್ಜಿಗಳನ್ನು ಒಪ್ಪಿಸುವುದು:

1) ದಾವಣಗೆರೆ ಜಿಲ್ಲೆ ಚನ್ನಗಿರಿ ತಾಲ್ಲೂಕಿನ ಶಾಂತಿಸಾಗರ ಕೆರೆಯಲ್ಲಿ ಸೆರೋಲಿ ಸಲ್ಯೂಷನ್ ಬೆಂಗಳೂರು ಇವರು ಜಲ ವಿದ್ಯುತ್‌ಗಾರವನ್ನು ಸ್ಥಾಪಿಸಲು ಸಲ್ಲಿಸಿರುವ ಪ್ರಸ್ತಾವನೆಯನ್ನು ರದ್ದುಪಡಿಸುವ ಬಗ್ಗೆ.
2) ಕಂದಾಯ ಇಲಾಖೆಯಲ್ಲಿ ಕೃಷಿ ಭೂಮಿ ಪರಿವರ್ತನೆ ಆನ್‌ಲೈನ್ ವ್ಯವಸ್ಥೆ ಇದ್ದರೂ ಜಾರಿಯಾಗದೇ ಇರುವ ಬಗ್ಗೆ.

... 2/ ..

## 4. ಶಾಸನ ರಚನೆ

### ವಿಧೇಯಕಗಳನ್ನು ಮಂಡಿಸುವುದು

**1.** **ಶ್ರೀ ಜೆ.ಸಿ. ಮಾಧುಸ್ವಾಮಿ (ಮಾನ್ಯ ಕಾನೂನು, ಸಂಸದೀಯ ವ್ಯವಹಾರಗಳು ಮತ್ತು ಶಾಸನ ರಚನೆ ಹಾಗೂ ಸಣ್ಣ ನೀರಾವರಿ ಸಚಿವರು) ಅವರು:–**

ಅ) 2020ನೇ ಸಾಲಿನ ಕರ್ನಾಟಕ ಸಂಸದೀಯ ಕಾರ್ಯದರ್ಶಿಗಳ ವೇತನ, ಭತ್ಯೆಗಳು ಮತ್ತು ಸಂಕೀರ್ಣ ಉಪಬಂಧಗಳ (ನಿರಸನಗೊಳಿಸುವ) ವಿಧೇಯಕವನ್ನು ಮಂಡಿಸಲು ಅನುಮತಿ ಕೋರುವುದು;

ಆ) ಹಾಗೂ ವಿಧೇಯಕವನ್ನು ಮಂಡಿಸುವುದು.

**2.** **ಶ್ರೀ ಆರ್. ಅಶೋಕ (ಮಾನ್ಯ ಕಂದಾಯ ಸಚಿವರು) ಅವರು:–**

ಅ) 2020ನೇ ಸಾಲಿನ ಕರ್ನಾಟಕ ಸ್ಟಾಂಪು (ಎರಡನೇ ತಿದ್ದುಪಡಿ) ವಿಧೇಯಕವನ್ನು ಮಂಡಿಸಲು ಅನುಮತಿ ಕೋರುವುದು;

ಆ) ಹಾಗೂ ವಿಧೇಯಕವನ್ನು ಮಂಡಿಸುವುದು.

## 5. ನಿಯಮ 69ರ ಮೇರೆಗೆ ಸಾರ್ವಜನಿಕ ಮಹತ್ವದ ಜರೂರು ವಿಷಯಗಳ ಬಗ್ಗೆ ಅಲ್ಪ ಕಾಲಾವಧಿ ಚರ್ಚೆ

1) **ಶ್ರೀಯುತರುಗಳಾದ** ಸಿದ್ದರಾಮಯ್ಯ, **ಡಾ: ಜಿ. ಪರಮೇಶ್ವರ್, ಕೃಷ್ಣ ಬೈರೇಗೌಡ, ಈಶ್ವರ ಖಂಡ್ರೆ, ಪ್ರಿಯಾಂಕ್ ಖರ್ಗೆ, ತನ್ವೀರ್ ಸೇಠ್ ಹಾಗೂ ಇತರರು** – ರಾಜ್ಯದಲ್ಲಿ ಇತ್ತೀಚೆಗೆ ಸಂಭವಿಸಿದ ನೆರೆಹಾವಳಿಯಿಂದ ಸಂಕಷ್ಟಕ್ಕೊಳಗಾಗಿರುವವರಿಗೆ ಪರಿಹಾರ ನೀಡುವ ಬಗ್ಗೆ ಪ್ರಸ್ತಾಪಿಸಲು ನೀಡಿರುವ ಸೂಚನೆಯ ಮೇಲೆ ನಡೆದ ಚರ್ಚೆಗೆ ಸರ್ಕಾರದ ಉತ್ತರ.

2) **ಶ್ರೀಯುತರುಗಳಾದ ಆರ್. ಮಂಜುನಾಥ್, ಹೆಚ್.ಡಿ. ರೇವಣ್ಣ, ಕೆ.ಎಂ. ಶಿವಲಿಂಗೇಗೌಡ, ಹೆಚ್.ಕೆ. ಕುಮಾರಸ್ವಾಮಿ ಹಾಗೂ ಇತರರು** – ದಾಸರಹಳ್ಳಿ ವಿಧಾನಸಭಾ ಕ್ಷೇತ್ರದ ವಿವಿಧ ಕಾಮಗಾರಿಗಳಿಗೆ ಅನುದಾನವನ್ನು ಬಿಡುಗಡೆ ಮಾಡುವ ಬಗ್ಗೆ ಪ್ರಸ್ತಾಪಿಸಲು ನೀಡಿರುವ ಸೂಚನೆಯ ಮೇಲೆ ಚರ್ಚೆ.

... 3/ ..

3) **ಶ್ರೀಯುತರುಗಳಾದ ಪಿ.ರಾಜೀವ್, ರಾಜಶೇಖರ್ ಬಸವರಾಜ ಪಾಟೀಲ್, ಪ್ರೀತಮ್ ಜೆ.ಗೌಡ, ಹಾಗೂ ಇತರರು** – ಬೆಂಗಳೂರು ಮಹಾನಗರದ ಕೊಳಗೇರಿಗಳಲ್ಲಿ ಹಲವು ವರ್ಷಗಳಿಂದ ಗುಡಿಸಲು ನಿರ್ಮಿಸಿಕೊಂಡು ವಾಸಿಸುತ್ತಿರುವ ಕುಟುಂಬಗಳಿಗೆ ಕಟ್ಟಡ ನಿರ್ಮಿಸಿಕೊಡುವ ಬಗ್ಗೆ ಪ್ರಸ್ತಾಪಿಸಲು ನೀಡಿರುವ ಸೂಚನೆಯ ಮೇಲೆ ಚರ್ಚೆ.

4) **ಡಾ: ಕೆ. ಅನ್ನದಾನಿ, ಶ್ರೀ ರವೀಂದ್ರ ಶ್ರೀಕಂಠಯ್ಯ ಮತ್ತು ಶ್ರೀ ಹೆಚ್.ಕೆ. ಕುಮಾರಸ್ವಾಮಿ ಅವರುಗಳು** – ಮಂಡ್ಯ ಜಿಲ್ಲೆ ಮಳವಳ್ಳಿ ತಾಲ್ಲೂಕಿನಲ್ಲಿ ಅಪೂರ್ಣಗೊಂಡಿರುವ ಪೂರಿಗಾಲಿ ಸಮಗ್ರ ಹನಿ/ತುಂತುರು ನೀರಾವರಿ ಯೋಜನೆಯ ಬಗ್ಗೆ ಪ್ರಸ್ತಾಪಿಸಲು ನೀಡಿರುವ ಸೂಚನೆಯ ಮೇಲೆ ಚರ್ಚೆ.

## 6. ಗಮನ ಸೆಳೆಯುವ ಸೂಚನೆಗಳು

1) **ಶ್ರೀ ದೊಡ್ಡಗೌಡರ ಮಹಾಂತೇಶ ಬಸವಂತರಾಯ್ ಅವರು** – ಬೆಳಗಾವಿ ಜಿಲ್ಲೆ ಕಿತ್ತೂರು ವಿಧಾನಸಭಾ ಕ್ಷೇತ್ರದ ನೇಸರಗಿ ಹೋಬಳಿ ಭಾಗದ ಬರ ಪೀಡಿತ ಗ್ರಾಮಗಳಿಗೆ ಕುಡಿಯುವ ನೀರು ಮತ್ತು ನೀರಾವರಿ ಸೌಲಭ್ಯ ಕಲ್ಪಿಸಲು ಚನ್ನವೃಷಭೇಂದ್ರ ಏತ ನೀರಾವರಿ ಯೋಜನೆಯ ಕಾಮಗಾರಿ ಬಗ್ಗೆ ಮಾನ್ಯ ಬೃಹತ್ ಮತ್ತು ಮಧ್ಯಮ ನೀರಾವರಿ ಸಚಿವರ ಗಮನ ಸೆಳೆಯುವುದು.

2) **ಶ್ರೀ ಎಸ್.ಎನ್. ನಾರಾಯಣಸ್ವಾಮಿ ಕೆ.ಎಂ. ಅವರು** – ಬಂಗಾರಪೇಟೆ ಪಟ್ಟಣದ ಕೋದಂಡರಾಮಸ್ವಾಮಿ ದೇವಾಲಯದ ಖಾಲಿ ಜಾಗದಲ್ಲಿ ಪಾರ್ಕಿಂಗ್, ವಾಣಿಜ್ಯ ಸಂಕೀರ್ಣ, ಕಲ್ಯಾಣ ಮಂಟಪ ನಿರ್ಮಿಸಲು ಹಣ ಬಿಡುಗಡೆ ಮಾಡುವ ಬಗ್ಗೆ ಮಾನ್ಯ ಮುಜರಾಯಿ, ಹಾಗೂ ಮೀನುಗಾರಿಕೆ, ಬಂದರು ಮತ್ತು ಒಳನಾಡು ಜಲಸಾರಿಗೆ ಸಚಿವರ ಗಮನ ಸೆಳೆಯುವುದು.

3) **ಶ್ರೀ ಎನ್. ಮಹೇಶ್ ಅವರು** –ಕೊಳ್ಳೇಗಾಲ ವಿಧಾನಸಭಾ ಕ್ಷೇತ್ರದ ಯಳಂದೂರು ಸರ್ಕಾರಿ ಆಸ್ಪತ್ರೆಯನ್ನು ತಾಲ್ಲೂಕು ಸಾರ್ವಜನಿಕ ಆಸ್ಪತ್ರೆಯನ್ನಾಗಿ ಮೇಲ್ದರ್ಜೆಗೆರಿಸಿ ಅಗತ್ಯ ಸೌಲಭ್ಯಗಳನ್ನು ಒದಗಿಸುವ ಬಗ್ಗೆ ಮಾನ್ಯ ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಹಾಗೂ ವೈದ್ಯಕೀಯ ಶಿಕ್ಷಣ ಸಚಿವರ ಗಮನ ಸೆಳೆಯುವುದು.

4) **ಶ್ರೀ ಯಶವಂತರಾಯಗೌಡ ವಿಠ್ಠಲಗೌಡ ಪಾಟೀಲ್ ಅವರು** – ವಿಜಯಪುರ ಜಿಲ್ಲೆಯ ಆಲಮಟ್ಟಿ ಜಲಾಶಯವನ್ನು ರಾಷ್ಟ್ರೀಕರಣಗೊಳಿಸಿ, ಕೃಷ್ಣಾ ಮೇಲ್ದಂಡೆ ಯೋಜನೆಯ ಎಲ್ಲಾ ಕಾಮಗಾರಿಗಳನ್ನು ಸಂಪೂರ್ಣಗೊಳಿಸುವ ಬಗ್ಗೆ ಮಾನ್ಯ ಜಲ ಸಂಪನ್ಮೂಲ ಸಚಿವರ ಗಮನ ಸೆಳೆಯುವುದು.

5) **ಶ್ರೀ ಎಸ್.ಎ. ರಾಮದಾಸ್ ಅವರು** – ಕರ್ನಾಟಕದಲ್ಲಿ ವೈದ್ಯಕೀಯ ಪದವಿ ಪಡೆದ ವಿದ್ಯಾರ್ಥಿಗಳಿಗೆ ಗ್ರಾಮೀಣ ಸೇವೆಯನ್ನು ಕಡ್ಡಾಯಗೊಳಿಸಿ ರೂಪಿಸಲಾಗಿರುವ ನಿಯಮವನ್ನು ಪರಿಣಾಮಕಾರಿಯಾಗಿ ಅನುಷ್ಠಾನಗೊಳಿಸುವ ಬಗ್ಗೆ ಮಾನ್ಯ ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಹಾಗೂ ವೈದ್ಯಕೀಯ ಶಿಕ್ಷಣ ಸಚಿವರ ಗಮನ ಸೆಳೆಯುವುದು.

6) **ಶ್ರೀ ಎನ್.ಹೆಚ್. ಶಿವಶಂಕರ ರೆಡ್ಡಿ ಅವರು** – ತುಮಕೂರು ಜಿಲ್ಲೆಯ ಕೆರೆಗಳಿಗೆ ನೀರು ತುಂಬಿಸುವ ವೃಷಭಾವತಿ ವ್ಯಾಲಿ ಯೋಜನೆಯನ್ನು ಪ್ರಾರಂಭಿಸುವ ಬಗ್ಗೆ ಮಾನ್ಯ ಕಾನೂನು, ಸಂಸದೀಯ ವ್ಯವಹಾರಗಳು ಮತ್ತು ಶಾಸನ ರಚನೆ ಹಾಗೂ ಸಣ್ಣ ನೀರಾವರಿ ಸಚಿವರ ಗಮನ ಸೆಳೆಯುವುದು.

7) **ಶ್ರೀ ರಾಜೀವ್ ಪಿ. ಅವರು** – ಅರೆ ಸೇನಾ ಪಡೆಯ ನಿವೃತ್ತ ಯೋಧರುಗಳಿಗೆ ಸರ್ಕಾರಿ ಉದ್ಯೋಗದಲ್ಲಿ ಮೀಸಲಾತಿ ಕಲ್ಪಿಸುವ ಬಗ್ಗೆ ಮಾನ್ಯ ಮುಖ್ಯಮಂತ್ರಿಯವರ ಗಮನ ಸೆಳೆಯುವುದು.

8) **ಶ್ರೀ ಸುನೀಲ್ ಬಿಳಿಯ ನಾಯಕ್ ಅವರು** – ಭಟ್ಕಳ – ಹೊನ್ನಾವರ ವಿಧಾನಸಭಾ ಕ್ಷೇತ್ರದ ಶಿರಾಲಿಯಲ್ಲಿರುವ ಗ್ರಾಮೀಣ ಸೇವಾ ಸಹಕಾರಿ ಸಂಘದ ಕಟ್ಟಡ ನಿರ್ಮಾಣ ಮತ್ತು ನೇಮಕಾತಿಯಲ್ಲಿ ನಿಯಮಗಳ ಉಲ್ಲಂಘನೆ ಮಾಡಿರುವ ಬಗ್ಗೆ ಮಾನ್ಯ ಸಹಕಾರ ಸಚಿವರ ಗಮನ ಸೆಳೆಯುವುದು.

9) **ಡಾ|| ಅಂಜಲಿ ಹೇಮಂತ್ ನಿಂಬಾಳ್ಕರ್ ಅವರು** –ಮರಾಠ ಸಮುದಾಯಕ್ಕೆ 2ಎ ಪ್ರವರ್ಗದಡಿ ಮೀಸಲಾತಿ ಸೌಲಭ್ಯವನ್ನು ಕಲ್ಪಿಸುವ ಬಗ್ಗೆ ಮಾನ್ಯ ಮುಖ್ಯಮಂತ್ರಿಯವರ ಗಮನ ಸೆಳೆಯುವುದು.

10) **ಶ್ರೀ ಮುನಿರತ್ನ ಅವರು** – ರಾಜರಾಜೇಶ್ವರಿನಗರ ವಿಧಾನಸಭಾ ಕ್ಷೇತ್ರದಲ್ಲಿ ರಾಜೀವ್ ಆವಾಸ್ ಯೋಜನೆಯಡಿ ಮನೆಗಳನ್ನು ನಿರ್ಮಾಣ ಮಾಡಲು ಗುತ್ತಿಗೆ ಪಡೆದಿರುವ ಗುತ್ತಿಗೆದಾರರನ್ನು ಕಪ್ಪು ಪಟ್ಟಿಗೆ ಸೇರಿಸುವ ಬಗ್ಗೆ ಮಾನ್ಯ ವಸತಿ ಸಚಿವರ ಗಮನ ಸೆಳೆಯುವುದು.

... 5/ ..

11) **ಶ್ರೀ ಪುಟ್ಟರಂಗಶೆಟ್ಟಿ ಅವರು** – ಚಾಮರಾಜನಗರ ಜಿಲ್ಲೆಯ ಜನರಿಗೆ ನಿರಂತರ ನೀರು ಸರಬರಾಜು ವ್ಯವಸ್ಥೆ ಒದಗಿಸುವ ಕರ್ನಾಟಕ ನಗರ ನೀರು ಸರಬರಾಜು ಮತ್ತು ಒಳಚರಂಡಿ ಮಂಡಳಿಯ ಮೂರನೇ ಹಂತದ ಯೋಜನೆಯ ಬಗ್ಗೆ ಮಾನ್ಯ ನಗರಾಭಿವೃದ್ಧಿ ಸಚಿವರ ಗಮನ ಸೆಳೆಯುವುದು.

12) **ಶ್ರೀ ಆರಗ ಜ್ಞಾನೇಂದ್ರ ಅವರು** – ದಾಖಲೆ ರಹಿತ ಜನವಸತಿ ಪ್ರದೇಶಗಳನ್ನು ಕಂದಾಯ ಗ್ರಾಮಗಳನ್ನಾಗಿ ಪರಿವರ್ತಿಸಿ ಅರ್ಹ ಫಲಾನುಭವಿಗಳಿಗೆ ಹಕ್ಕುಪತ್ರ ನೀಡುವ ಬಗ್ಗೆ ಮಾನ್ಯ ಕಂದಾಯ ಸಚಿವರ ಗಮನ ಸೆಳೆಯುವುದು.

13) **ಶ್ರೀ ಗೂಳಿಹಟ್ಟಿ ಡಿ. ಶೇಖರ್ ಅವರು** – ಆನೇಕಲ್ ತಾಲ್ಲೂಕಿನ ಹುಲಿಮಂಗಲದಲ್ಲಿ ಸರ್ಕಾರಿ ಭೂಮಿಯನ್ನು ಒತ್ತುವರಿ ಮಾಡಿ ನಿರ್ಮಿಸಿರುವ ಕಟ್ಟಡವನ್ನು ತೆರವುಗೊಳಿಸುವ ಬಗ್ಗೆ ಮಾನ್ಯ ಕಂದಾಯ ಸಚಿವರ ಗಮನ ಸೆಳೆಯುವುದು.

14) **ಶ್ರೀ ಜಿ.ಬಿ. ಜ್ಯೋತಿಗಣೇಶ್ ಅವರು** –ತುಮಕೂರು ತಾಲ್ಲೂಕಿನ ವಸಂತನರಸಾಪುರದಲ್ಲಿ ನಿರ್ಮಾಣ ಮಾಡಲಾಗುತ್ತಿರುವ ಕೈಗಾರಿಕಾ ಪ್ರದೇಶಕ್ಕೆ ಕುಡಿಯುವ ನೀರು ಪೂರೈಸಲು ಕೈಗೊಂಡಿರುವ ಯೋಜನೆಯ ಬಗ್ಗೆ ಮಾನ್ಯ ಜಲ ಸಂಪನ್ಮೂಲ ಸಚಿವರ ಗಮನ ಸೆಳೆಯುವುದು.

15) **ಶ್ರೀ ಕೆ.ಎಂ. ಶಿವಲಿಂಗೇಗೌಡ ಅವರು** – ಅರಸೀಕೆರೆ ವಿಧಾನಸಭಾ ಕ್ಷೇತ್ರದ ಕೆಲವು ಗ್ರಾಮಗಳ ಕೆರೆಗಳಿಗೆ ಭದ್ರಾ ಮೇಲ್ದಂಡೆ ಯೋಜನೆಯಡಿಯಲ್ಲಿ ನೀರು ಹರಿಸುವ ಬಗ್ಗೆ ಮಾನ್ಯ ಜಲ ಸಂಪನ್ಮೂಲ ಸಚಿವರ ಗಮನ ಸೆಳೆಯುವುದು.

**ಎಂ.ಕೆ. ವಿಶಾಲಾಕ್ಷಿ**
**ಕಾರ್ಯದರ್ಶಿ(ಪ್ರ)**

---

**ವಿಧಾನಸಭೆಯ ಕಾರ್ಯಕಲಾಪಗಳ ಪಟ್ಟಿಯನ್ನು ವೆಬ್‌ಸೈಟ್‌ನಲ್ಲಿಯೂ ಸಹ ಪಡೆದುಕೊಳ್ಳಬಹುದು.**
http://kla.kar.nic.in/assembly/lob/lob.htm